KA / BG-GPO / 2515 / WPP-47 / 2009-2011

# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೫ | ಬೆಂಗಳೂರು, ಗುರುವಾರ, ಏಪ್ರಿಲ್ ೧, ೨೦೧೦ (ಚೈತ್ರ ೧೧, ಶಕ ವರ್ಷ ೧೯೩೨) | ಸಂಚಿಕೆ ೧೩ |
|---|---|---|

## ಭಾಗ – ೪ಎ

## ರಾಜ್ಯದ ವಿಧೇಯಕಗಳ ಮತ್ತು ಅವುಗಳ ಮೇಲೆ ಪರಿಶೀಲನಾ ಸಮಿತಿಯ ವರದಿಗಳು, ರಾಜ್ಯದ ಅಧಿನಿಯಮಗಳು ಮತ್ತು ಅಧ್ಯಾದೇಶಗಳು, ಕೇಂದ್ರದ ಮತ್ತು ರಾಜ್ಯದ ಶಾಸನಗಳ ಮೇರೆಗೆ ರಾಜ್ಯ ಸರ್ಕಾರವು ಹೊರಡಿಸಿದ ಸಾಮಾನ್ಯ ಶಾಸನಬದ್ಧ ನಿಯಮಗಳು ಮತ್ತು ರಾಜ್ಯಾಂಗದ ಮೇರೆಗೆ ರಾಜ್ಯಪಾಲರು ಮಾಡಿದ ನಿಯಮಗಳು, ಹಾಗೂ ಕರ್ನಾಟಕ ಉಚ್ಚ ನ್ಯಾಯಾಲಯವು ಮಾಡಿದ ನಿಯಮಗಳು.

**ಸಹಕಾರ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಸಿಒ 3 ಸಿಎನ್‌ಎಸ್ 2010, ಬೆಂಗಳೂರು, ದಿನಾಂಕ: 5ನೇ ಮಾರ್ಚ್, 2010**

ಕರ್ನಾಟಕ ಸಹಕಾರ ಸಂಘಗಳ ಅಧಿನಿಯಮ 1959 (1959ರ ಕರ್ನಾಟಕ ಅಧಿನಿಯಮ ಸಂಖ್ಯೆ 11)ರ ಪ್ರಕರಣ 29ರ ಉಪ ಪ್ರಕರಣ (1) ರ ಮೇರೆಗೆ ದತ್ತವಾದ ಅಧಿಕಾರವನ್ನು ಚಲಾಯಿಸಿ, ಕರ್ನಾಟಕ ಸರ್ಕಾರವು ಈ ಕೆಳಕಂಡ ವ್ಯಕ್ತಿಗಳನ್ನು ಚಿಕ್ಕಮಗಳೂರು ಜಿಲ್ಲೆ ಮೂಡಿಗೆರೆ ತಾಲ್ಲೂಕಿನ ವ್ಯವಸಾಯೋತ್ಪನ್ನ ಮಾರಾಟ ಸಹಕಾರ ಸಂಘ ನಿ., ಮೂಡಿಗೆರೆ ಇದರ ಆಡಳಿತ ಮಂಡಳಿಗೆ ಸದಸ್ಯರನ್ನಾಗಿ ಈ ಕೂಡಲೇ ಜಾರಿಗೆ ಬರುವಂತೆ ನಾಮನಿರ್ದೇಶನ ಮಾಡುತ್ತದೆ. ಹೀಗೆ ನಾಮನಿರ್ದೇಶನಗೊಂಡ ಸದಸ್ಯರ ಪದಾವಧಿಯು ಚುನಾಯಿತ ಸಮಿತಿಯ ಪದಾವಧಿಯು ಮುಕ್ತಾಯವಾಗುವವರೆಗೆ ಅಥವಾ ಸರ್ಕಾರದ ಮುಂದಿನ ಆದೇಶದವರೆಗೆ ಇವುಗಳಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ ಜಾರಿಯಲ್ಲಿರುತ್ತದೆ.

1. ಶ್ರೀ ಹೆಚ್.ಬಿ. ಶಿವಣ್ಣ ಬಿನ್ ಬೈರೇಗೌಡ ಹೆಚ್.ಬಿ. ಹಳಸೆ ಎಸ್ಟೇಟ್, ಹಳಸೆ ಅಂಚೆ, ಮೂಡಿಗೆರೆ ತಾಲ್ಲೂಕು, ಚಿಕ್ಕಮಗಳೂರು ಜಿಲ್ಲೆ.
2. ಶ್ರೀ ಶಂಕರ ಬಿನ್ ಕಾಳಯ್ಯ, ಹೊರಟ್ಟೆ ಜಕಲಿ ಅಂಚೆ, ಮೂಡಿಗೆರೆ ತಾಲ್ಲೂಕು ಚಿಕ್ಕಮಗಳೂರು ಜಿಲ್ಲೆ
3. ಶ್ರೀಮತಿ ಸರೋಜ ಗಂಡ ಸುಬ್ರಮಣ್ಯ, ತರುವೆ ಕೊಟ್ಟಗೆಹಾರ, ಮೂಡಿಗೆರೆ ತಾಲ್ಲೂಕು, ಚಿಕ್ಕಮಗಳೂರು ಜಿಲ್ಲೆ

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 173

**ಆರ್.ಎಸ್. ಹುಚ್ಚಾಚಾರಿ**

ವಿಶೇಷ ಕರ್ತವ್ಯಾಧಿಕಾರಿ ಹಾಗೂ ಪದನಿಮಿತ್ತ

ಸರ್ಕಾರದ ಜಂಟಿ ಕಾರ್ಯದರ್ಶಿ

ಸಹಕಾರ ಇಲಾಖೆ

**ಅಧಿಸೂಚನೆ**

**ಸಂಖ್ಯೆ: ಸಿಒ 4 ಸಿಎಸ್‌ಎಸ್ 2010, ಬೆಂಗಳೂರು, ದಿನಾಂಕ: 5ನೇ ಮಾರ್ಚ್, 2010**

ಕರ್ನಾಟಕ ಸಹಕಾರ ಸಂಘಗಳ ಅಧಿನಿಯಮ 1959 (1959ರ ಕರ್ನಾಟಕ ಅಧಿನಿಯಮ ಸಂಖ್ಯೆ 11)ರ ಪ್ರಕರಣ 29ರ ಉಪ ಪ್ರಕರಣ (1) ರ ಮೇರೆಗೆ ದತ್ತವಾದ ಅಧಿಕಾರಗಳನ್ನು ಚಲಾಯಿಸಿ, ಕರ್ನಾಟಕ ಸರ್ಕಾರವು ಈ ಕೆಳಕಂಡ ವ್ಯಕ್ತಿಗಳನ್ನು ಕಲ್ಬುರ್ಗಿ ಜಿಲ್ಲೆ ಮತ್ತು ತಾಲ್ಲೂಕಿನ ಕೃಷಿ ಉತ್ಪನ್ನ ಮಾರಾಟ ಸಹಕಾರ ಸಂಘ ನಿ. ಕಲ್ಬುರ್ಗಿ ಇದರ ಆಡಳಿತ ಮಂಡಳಿಗೆ ಸದಸ್ಯರನ್ನಾಗಿ ಈ ಕೂಡಲೇ ಜಾರಿಗೆ ಬರುವಂತೆ ನಾಮನಿರ್ದೇಶನ ಮಾಡುತ್ತದೆ. ಹೀಗೆ ನಾಮನಿರ್ದೇಶನಗೊಂಡ ಸದಸ್ಯರ ಪದಾವಧಿಯು ಚುನಾಯಿತ ಸಮಿತಿಯ ಪದಾವಧಿಯು ಮುಕ್ತಾಯವಾಗುವವರೆಗೆ ಅಥವಾ ಸರ್ಕಾರದ ಮುಂದಿನ ಆದೇಶದವರೆಗೆ ಇವುಗಳಲ್ಲಿ ಯಾವುದು ಮೊದಲೋ ಅಲ್ಲಿಯವರೆಗೆ ಜಾರಿಯಲ್ಲಿರುತ್ತದೆ.

1. ಶ್ರೀ ಕೌಡಪ್ಪ ಸುಭಾಷ್ ಪಾಟೀಲ್, ಬಬಲಾದ್ ಗ್ರಾಮ, ಕಲ್ಬುರ್ಗಿ ತಾಲ್ಲೂಕು ಮತ್ತು ಜಿಲ್ಲೆ
2. ಶ್ರೀಮತಿ ಶಿವಕಾಂತಮ್ಮ ಕೋಂ ಹೊನ್ನಪ್ಪ, ನಾಗನಹಳ್ಳಿ, ಕಲ್ಬುರ್ಗಿ ತಾಲ್ಲೂಕು ಮತ್ತು ಜಿಲ್ಲೆ
3. ಶ್ರೀ ಪ್ರಭು ವಿಠಲ್ ಸಿಲ್ಡ್ ನಾಗನಹಳ್ಳಿ ಗ್ರಾಮ, ಕಲ್ಬುರ್ಗಿ ತಾಲ್ಲೂಕು ಮತ್ತು ಜಿಲ್ಲೆ

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 174

**ಆರ್.ಎಸ್. ಹುಚ್ಚಾಚಾರಿ**

ವಿಶೇಷ ಕರ್ತವ್ಯಾಧಿಕಾರಿ ಹಾಗೂ ಪದನಿಮಿತ್ತ

ಸರ್ಕಾರದ ಜಂಟಿ ಕಾರ್ಯದರ್ಶಿ

ಸಹಕಾರ ಇಲಾಖೆ

**ಒಳಾಡಳಿತ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಒಇ 432 ಪಿಎಂಎಸ್ 2008, ಬೆಂಗಳೂರು, ದಿನಾಂಕ: 6ನೇ ಮಾರ್ಚ್, 2010**

1872ರ ಇಂಡಿಯನ್ ಕ್ರಿಶ್ಚಿಯನ್ ಮ್ಯಾರೇಜ್ ಕಾಯಿದೆಯ 9ನೇ ಕಲಂನಲ್ಲಿ ಪ್ರದತ್ತವಾಗಿರುವ ಅಧಿಕಾರವನ್ನು ಚಲಾಯಿಸಿ ಇಂಡಿಯನ್ ಕ್ರಿಶ್ಚಿಯನ್ ಮ್ಯಾರೇಜ್ (ಕರ್ನಾಟಕ) ನಿಯಮಗಳು 1961 ರಂತೆ ಕಾರ್ಯನಿರ್ವಹಿಸಲು ಪಾಸ್ಟರ್ ಜಿ. ಯೋಹಾನನ್, ಇಂಟರ್ ನ್ಯಾಷನಲ್ ಡಿವೈನ್ ಲವ್ ಮಿನಿಸ್ಟ್ರೀಸ್, ನಂ 139, 3ನೇ ಕ್ರಾಸ್, ಮುನಿನಂಜಪ್ಪ, ಗಾರ್ಡನ್, ಕೆ.ಬಿ. ಸಂದ್ರ, ಆರ್.ಟಿ. ನಗರ ಅಂಚೆ, ಬೆಂಗಳೂರು–560032 ಇವರಿಗೆ ಮೇಲಿನ ಕಾಯ್ದೆಯಡಿಯಲ್ಲಿ ಬೆಂಗಳೂರು ಜಿಲ್ಲೆ ಆಡಳಿತ ವ್ಯಾಪ್ತಿಗೆ ಮಾತ್ರ ಸೀಮಿತಗೊಳಿಸಿ, ವಿವಾಹ ವಿಧಿಯನ್ನು ನೆರವೇರಿಸಲು ಸದರಿ ಕಾಯ್ದೆಯಡಿಯಲ್ಲಿ ಸೂಚಿಸಿರುವ ಷರತ್ತುಗಳನ್ನು ಪೂರೈಸುವ ಷರತ್ತಿಗೊಳಪಟ್ಟು ಅನುಮತಿಯನ್ನು ಈ ಮೂಲಕ ನೀಡಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 175

**ಆಲಿಸ್ ಗೊನ್ಸಾಲ್ವಿಸ್**

ಸರ್ಕಾರದ ಅಧೀನ ಕಾರ್ಯದರ್ಶಿ

ಒಳಾಡಳಿತ ಇಲಾಖೆ

(ರಹದಾರಿ ಮತ್ತು ವಿದೇಶಿಯರು)

**ಕಂದಾಯ ಸಚಿವಾಲಯ**

**ತಿದ್ದುಪಡಿ ಅಧಿಸೂಚನೆ ಸಂಖ್ಯೆ: ಕಂಇ 60 ಎಲ್‌ಆರ್‌ಎಂ 2009, ಬೆಂಗಳೂರು, ದಿನಾಂಕ: 11ನೇ ಫೆಬ್ರವರಿ, 2010**

ಬಸವಕಲ್ಯಾಣ ಎಜುಕೇಷನ್ ಟ್ರಸ್ಟ್, ಬಸವಕಲ್ಯಾಣ, ಬೀದರ್ ಜಿಲ್ಲೆ, ಇವರಿಗೆ ಕರ್ನಾಟಕ ಭೂ ಸುಧಾರಣೆ ಕಾಯ್ದೆ 1961ರ ಕಲಂ 109ರಲ್ಲಿ ಬಸವಕಲ್ಯಾಣ ತಾಲ್ಲೂಕಿನ ನಾರಾಯಣಪುರ ಗ್ರಾಮದ ವಿವಿಧ ಸರ್ವೆ ನಂಬರುಗಳಲ್ಲಿ ಶೈಕ್ಷಣಿಕ 'ಉದ್ದೇಶಕ್ಕಾಗಿ ಜಮೀನು ಖರೀದಿಸಲು ಅನುಮತಿ ನೀಡಲಾದ ಸರ್ಕಾರದ ಅಧಿಸೂಚನೆ ಸಂಖ್ಯೆ:ಕಂಇ 29 ಎಲ್‌ಆರ್‌ಎಂ 1999 ದಿನಾಂಕ:26.3.1999 ರಲ್ಲಿಯ 3ನೇ ಸಾಲಿನಲ್ಲಿ "473/ಕ ರಲ್ಲಿ 4 ಎಕರೆ" ಎಂಬುದರ ಬದಲಾಗಿ "472/1ರಲ್ಲಿ 3 ಎಕರೆ 18 ಗುಂಟೆ" ಎಂದು ತಿದ್ದಿಕೊಂಡು ಓದಿಕೊಳ್ಳತಕ್ಕದ್ದು ಹಾಗೂ ಉದ್ದೇಶ ಪೂರೈಸಿಕೊಳ್ಳಲು ಕಾಲಾವಕಾಶವನ್ನು ಕೂಡ ವಿಸ್ತರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 176

**ಟಿ.ಎನ್. ನಾರಾಯಣ ಗೌಡ**

ಸರ್ಕಾರದ ಅಧೀನ ಕಾರ್ಯದರ್ಶಿ

ಕಂದಾಯ ಇಲಾಖೆ (ಭೂ ಸುಧಾರಣೆ)

**ಅಧಿಸೂಚನೆ**

**ಸಂಖ್ಯೆ:ಕಂಇ 81 ಎಲ್‌ಆರ್‌ಎಂ 2009, ಬೆಂಗಳೂರು, ದಿನಾಂಕ:03ನೇ ಮಾರ್ಚ್, 2010.**

ಮೈಸೂರು ವಿಶ್ವವಿದ್ಯಾಲಯ ಉದ್ಯೋಗಿಗಳ ಗೃಹ ನಿರ್ಮಾಣ ಸಹಕಾರ ಸಂಘ (ನಿ), ಮೈಸೂರು, ರವರು ಮೈಸೂರು ತಾಲ್ಲೂಕು, ದಟ್ಟಗಳ್ಳಿ, ಗ್ರಾಮದ ಸರ್ವೆ ನಂ.88/2 ಹಾಗೂ ಇತರೆಗಳಲ್ಲಿ 2 ಎಕರೆ 16 ಗುಂಟೆ ಜಮೀನನ್ನು ಖರೀದಿಸಿದ್ದು ಈ ಬಗ್ಗೆ ನಮೂನೆ 15–ಎ ಮತ್ತು ನಮೂನೆ 15–ಎಎ, ಗಳಲ್ಲಿನ ಮಾಹಿತಿ ಅನುಸರಿಸಿ ಜಿಲ್ಲಾಧಿಕಾರಿ, ಮೈಸೂರು ಜಿಲ್ಲೆ, ಇವರ ಪತ್ರ ಸಂಖ್ಯೆ:ಎಲ್‌ಆರ್‌ಎಫ್:ಎಸ್‌ಪಿಎಲ್.01/09–10 ದಿನಾಂಕ:26–05–2009 ರಲ್ಲಿ ಪ್ರಸ್ತಾಪಿತ ಮೇಲ್ಕಂಡ ಜಮೀನನ್ನು **ವಸತಿ ಉದ್ದೇಶಕ್ಕಾಗಿ** ಕರ್ನಾಟಕ ಭೂ ಸುಧಾರಣೆ ಕಾಯ್ದೆ (ತಿದ್ದುಪಡಿ) ಕಲಂ 109 ರಡಿ ಅನುಮತಿ ನೀಡಲು ಶಿಫಾರಸ್ಸು ಮಾಡಿರುತ್ತಾರೆ.

ಪ್ರಸ್ತಾಪಿತ ಜಮೀನು ಖರೀದಿಸಲು ಖಾತೆದಾರರಿಂದ ಕರಾರು ಪತ್ರ ಮಾಡಿಕೊಂಡಿರುತ್ತಾರೆ ಹಾಗೂ ಸದರಿ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಅಧಿನಿಯಮ 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ರಾಜ್ಯ ಸರ್ಕಾರವು ಸಾರ್ವಜನಿಕ ಹಿತಾಸಕ್ತಿಯ ಮೇಲೆ ಕಾರಣಗಳನ್ನು ದಾಖಲಿಸಿ ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೇ ವಿಸ್ತೀರ್ಣದ ಭೂಮಿಯನ್ನು ಷರತ್ತು ಮತ್ತು ನಿರ್ಬಂಧನೆಗಳನ್ನು ವಿಧಿಸಿ ಕರ್ನಾಟಕ ಭೂ ಸುಧಾರಣಾ ಅಧಿನಿಯಮ 1961ರ ಕಲಂ 63, 79ಎ, 79ಬಿ ಅಥವಾ 80ರ ಅವಕಾಶಗಳಿಂದ ವಿನಾಯಿತಿ ನೀಡಲು ಸದರಿ ಅಧಿನಿಯಮದ ಕಲಂ 109(1ಎ) ರಡಿ ಅವಕಾಶ ಕಲ್ಪಿಸಿದೆ.

ಈ ಪ್ರಸ್ತಾವನೆಯು ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ಅಧಿನಿಯಮ 1995ರ ಕಲಂ 109(1ಎ) ಮತ್ತು ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ನಿಯಮಗಳು, 1996ರ ನಿಯಮ 38–ಬಿ ಮತ್ತು 38–ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು ಕರ್ನಾಟಕ ಭೂ ಸುಧಾರಣೆ ಅಧಿನಿಯಮ 1961ರ ಕಲಂ 63, 79ಎ, 79ಬಿ, ಅಥವಾ 80ಕ್ಕೆ ವಿನಾಯಿತಿ ನೀಡಿ ಮೈಸೂರು ವಿಶ್ವವಿದ್ಯಾಲಯ ಉದ್ಯೋಗಿಗಳ ಗೃಹ ನಿರ್ಮಾಣ ಸಹಕಾರ ಸಂಘ (ನಿ), ಮೈಸೂರು, ರವರು ಮೈಸೂರು ತಾಲ್ಲೂಕು, ದಟ್ಟಗಳ್ಳಿ, ಗ್ರಾಮದ ಸರ್ವೆ ನಂ.88/2 ಹಾಗೂ ಇತರೆಗಳಲ್ಲಿ 2 ಎಕರೆ 16 ಗುಂಟೆ ಜಮೀನನ್ನು **ವಸತಿ ಉದ್ದೇಶಕ್ಕಾಗಿ** ಖರೀದಿಸಲು ಕರ್ನಾಟಕ ಭೂ ಸುಧಾರಣೆ ಕಾಯ್ದೆ 1961ರ ಕಲಂ 109 ರಡಿ ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ:–

1 ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು.

2 ವಿನಾಯಿತಿ ಪಡೆದವರು ಸರ್ಕಾರ ಅಥವಾ ಯಾವುದೇ ಷೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ, 1956ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 51 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರದ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ/ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ.

3 ವಿನಾಯಿತಿ ಪಡೆದವರು ಸರ್ಕಾರ ಅಥವಾ ಯಾವುದೇ ಷೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ, 1956ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 51 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರದ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ/ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ.

4 ಜಮೀನು ನಗರಾಭಿವೃದ್ಧಿ ಪ್ರಾಧಿಕಾರದ ಸಿ.ಡಿ.ಪಿ/ಓ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು.

5 ಈ ಅನುಮತಿಯು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109 ರನ್ವಯ ವಿನಾಯಿತಿ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತದೆ.

6 ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಅಧಿನಿಯಮ, 1964ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯತಕ್ಕದ್ದು.

7 ಸಂಸ್ಥೆ ನಡೆಸುವ ಚಟುವಟಿಕೆಗಳು ಸ್ಥಳೀಯ ಕಾನೂನು, ಕರ್ನಾಟಕ ಮತ್ತು ಭಾರತದ ಕಾನೂನುಗಳನ್ನು ಪಾಲಿಸತಕ್ಕದ್ದು

8 ಪ್ರಸ್ತಾಪಿತ ಜಮೀನುಗಳಲ್ಲಿ ಯಾವುದೇ ಅಭಿವೃದ್ಧಿ ಕಾರ್ಯ ಕೈಗೊಳ್ಳುವ ಮೊದಲು ಜಮೀನಿನ ವಿನ್ಯಾಸಕ್ಕೆ ನಗರ ಯೋಜನಾ ಇಲಾಖೆ/ಅಭಿವೃದ್ಧಿ ಪ್ರಾಧಿಕಾರ/ಸ್ಥಳೀಯ ಪ್ರಾಧಿಕಾರಗಳಿಂದ ಅನುಮೋದನೆ ಪಡೆಯತಕ್ಕದ್ದು.

9 ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾಪಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 178

**ಟಿ.ಎನ್. ನಾರಾಯಣ ಗೌಡ**
ಸರ್ಕಾರದ ಅಧೀನ ಕಾರ್ಯದರ್ಶಿ
ಕಂದಾಯ ಇಲಾಖೆ (ಭೂ ಸುಧಾರಣೆ)

**ಅಧಿಸೂಚನೆ**

**ಸಂಖ್ಯೆ:ಕಂಇ 83 ಎಲ್‌ಆರ್‌ಎಂ 2009, ಬೆಂಗಳೂರು, ದಿನಾಂಕ:1ನೇ ಮಾರ್ಚ್ 2010**

ಅಂಜುಮನ್–ಎ–ಇಸ್ಲಾಂ. ಕಲ್ಲಾಪುರ, ಇವರು ಹಾವೇರಿ ಜಿಲ್ಲೆ, ಹಾನಗಲ್ ತಾಲ್ಲೂಕು, ಕಲ್ಲಾಪುರ ಗ್ರಾಮದ ಸ.ನಂ.68 ರಲ್ಲಿ 2 ಎಕರೆ 30 ಗುಂಟೆ ಜಮೀನನ್ನು ಮುಸ್ಲಿಂ ಸಮಾಜದ **ಖಬರಸ್ಥಾನ ಸ್ಥಾಪಿಸುವ** ಉದ್ದೇಶಕ್ಕಾಗಿ ನಮೂನೆ 15–ಎ ಮತ್ತು ನಮೂನೆ 15–ಎಎ, ಗಳಲ್ಲಿನ ಮಾಹಿತಿ ಅನುಸರಿಸಿ ಜಿಲ್ಲಾಧಿಕಾರಿಗಳು, ಹಾವೇರಿ ಜಿಲ್ಲೆ, ಇವರ ಪತ್ರ ಸಂಖ್ಯೆ:ಭೂಸು (109) ಸಿಆರ್–12ಎ/2007–08 ದಿನಾಂಕ: 27–08–2009 ರಲ್ಲಿ ಪ್ರಸ್ತಾಪಿತ ಮೇಲ್ಕಂಡ 2 ಎಕರೆ 30 ಗುಂಟೆ ಜಮೀನನ್ನು ಖರೀದಿಸಲು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109 ರಡಿ ಅನುಮೋದನೆ/ವಿನಾಯಿತಿ ನೀಡುವ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಪ್ರಸ್ತಾಪಿತ ಜಮೀನು ಖರೀದಿಸಲು ಖಾತೆದಾರರಿಂದ ಕರಾರು ಪತ್ರ ಮಾಡಿಕೊಂಡಿರುತ್ತಾರೆ ಹಾಗೂ ಸದರಿ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಅಧಿನಿಯಮ 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ರಾಜ್ಯ ಸರ್ಕಾರವು ಸಾರ್ವಜನಿಕ ಹಿತಾಸಕ್ತಿಯ ಮೇಲೆ ಕಾರಣಗಳನ್ನು ದಾಖಲಿಸಿ ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೇ ವಿಸ್ತೀರ್ಣದ ಭೂಮಿಯನ್ನು ಷರತ್ತು ಮತ್ತು ನಿರ್ಬಂಧನೆಗಳನ್ನು ವಿಧಿಸಿ ಕರ್ನಾಟಕ ಭೂ ಸುಧಾರಣಾ ಅಧಿನಿಯಮ 1961ರ ಕಲಂ 63, 79ಎ, 79ಬಿ ಅಥವಾ 80ರ ಅವಕಾಶಗಳಿಂದ ವಿನಾಯಿತಿ ನೀಡಲು ಸದರಿ ಅಧಿನಿಯಮದ ಕಲಂ 109(1ಎ) ರಡಿ ಅವಕಾಶ ಕಲ್ಪಿಸಿದೆ.

ಈ ಪ್ರಸ್ತಾವನೆ ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ಅಧಿನಿಯಮ 1995ರ ಕಲಂ 109(1ಎ) ಮತ್ತು ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ನಿಯಮಗಳು, 1996ರ ನಿಯಮ 38–ಬಿ ಮತ್ತು 38–ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು ಕರ್ನಾಟಕ ಭೂ ಸುಧಾರಣೆ ಅಧಿನಿಯಮ 1961ರ ಕಲಂ 63, 79ಎ, 79ಬಿ, ಅಥವಾ 80ಕ್ಕೆ ವಿನಾಯಿತಿ ನೀಡಿ ಅಂಜುಮನ್–ಎ–ಇಸ್ಲಾಂ. ಇವರು ಹಾವೇರಿ ಜಿಲ್ಲೆ, ಹಾನಗಲ್ ತಾಲ್ಲೂಕು, ಕಲ್ಲಾಪುರ ಗ್ರಾಮದ ಸ.ನಂ.68 ರಲ್ಲಿ 2 ಎಕರೆ 30 ಗುಂಟೆ ಜಮೀನನ್ನು ಮುಸ್ಲಿಂ ಸಮಾಜದ **ಖಬರಸ್ಥಾನ ಸ್ಥಾಪಿಸುವ** ಉದ್ದೇಶಕ್ಕಾಗಿ ಖರೀದಿಸಲು ಕರ್ನಾಟಕ ಭೂ ಸುಧಾರಣೆ ಕಾಯ್ದೆ 1961ರ ಕಲಂ 109ರಡಿ ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ:–

1 ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು.

2 ವಿನಾಯಿತಿ ಪಡೆದವರು ಸರ್ಕಾರ ಅಥವಾ ಯಾವುದೇ ಷೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ, 1956ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 51 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರದ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ/ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ.

3 ಜಮೀನು ನಗರಾಭಿವೃದ್ಧಿ ಪ್ರಾಧಿಕಾರದ ಸಿ.ಡಿ.ಪಿ/ಒ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು.

4 ಈ ಅನುಮತಿಯು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109 ರನ್ವಯ ವಿನಾಯಿತಿ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತದೆ.

5 ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಅಧಿನಿಯಮ, 1964ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯತಕ್ಕದ್ದು.

6 ಸಂಸ್ಥೆ ನಡೆಸುವ ಚಟುವಟಿಕೆಗಳು ಸ್ಥಳೀಯ ಕಾನೂನು, ಕರ್ನಾಟಕ ಮತ್ತು ಭಾರತದ ಕಾನೂನುಗಳನ್ನು ಪಾಲಿಸತಕ್ಕದ್ದು.

7 ಪ್ರಸ್ತಾಪಿತ ಜಮೀನುಗಳಲ್ಲಿ ಯಾವುದೇ ಅಭಿವೃದ್ಧಿ ಕಾರ್ಯ ಕೈಗೊಳ್ಳುವ ಮೊದಲು ಜಮೀನಿನ ವಿನ್ಯಾಸಕ್ಕೆ ನಗರ ಯೋಜನಾ ಇಲಾಖೆ/ಅಭಿವೃದ್ಧಿ ಪ್ರಾಧಿಕಾರ/ಸ್ಥಳೀಯ ಪ್ರಾಧಿಕಾರಗಳಿಂದ ಅನುಮೋದನೆ ಪಡೆಯತಕ್ಕದ್ದು.

8 ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾಪಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 179

**ಟಿ.ಎನ್. ನಾರಾಯಣ ಗೌಡ**

ಸರ್ಕಾರದ ಅಧೀನ ಕಾರ್ಯದರ್ಶಿ

ಕಂದಾಯ ಇಲಾಖೆ (ಭೂ ಸುಧಾರಣೆ)

## ಅಧಿಸೂಚನೆ

**ಸಂಖ್ಯೆ:ಕಂಇ 68 ಎಲ್‌ಆರ್‌ಎಂ 2009, ಬೆಂಗಳೂರು, ದಿನಾಂಕ:03ನೇ ಮಾರ್ಚ್, 2010**

ಕಾಂಗ್ರಿಗೇಷನ್ ಆಫ್ ದಿ ಸಿಸ್ಟರ್ಸ್ ಆಫ್ ಸೆಂಟ್ ಜೋಸೆಫ್ ಆಫ್ ಕ್ಲಾನಿ ಬೆಂಗಳೂರು. ಇವರು ಮೈಸೂರು ಜಿಲ್ಲೆ, ಹೆಚ್.ಡಿ.ಕೋಟೆ ತಾಲ್ಲೂಕು, ಹೆಚ್.ಡಿ.ಕೋಟೆ ಗ್ರಾಮದ ಸರ್ವೆ ನಂ.165/1ಪಿ2, 351, 359 ರಲ್ಲಿ 8 ಎಕರೆ 20 ಗುಂಟೆ ಜಮೀನನ್ನು **ವೃದ್ಧಾಶ್ರಮ ಹಾಗೂ ಕನ್ಯಾಸ್ತ್ರೀಯರ ಆಶ್ರಮ ಸ್ಥಾಪಿಸುವ** ಉದ್ದೇಶಕ್ಕಾಗಿ ನಮೂನೆ 15–ಎ ಮತ್ತು ನಮೂನೆ 15–ಎಎ, ಗಳಲ್ಲಿನ ಮಾಹಿತಿ ಅನುಸರಿಸಿ ಜಿಲ್ಲಾಧಿಕಾರಿಗಳು, ಮೈಸೂರು ಜಿಲ್ಲೆ, ಇವರ ಪತ್ರ ಸಂಖ್ಯೆ:ಎಲ್‌ಆರ್‌ಎಫ್.ಎಸ್.ಪಿ.ಎಲ್–27/2008–09 ದಿನಾಂಕ:23–06–2009 ರಲ್ಲಿ ಪ್ರಸ್ತಾಪಿತ ಮೇಲ್ಕಂಡ 8 ಎಕರೆ 20 ಗುಂಟೆ ಜಮೀನನ್ನು ಖರೀದಿಸಲು ಕರ್ನಾಟಕ ಭೂ ಸುಧಾರಣೆ ಅಧಿನಿಯಮ, 1961ರ ಕಲಂ 109 ರಡಿ ಅನುಮೋದನೆ/ವಿನಾಯಿತಿ ನೀಡುವ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಪ್ರಸ್ತಾಪಿತ ಜಮೀನು ಖರೀದಿಸಲು ಖಾತೆದಾರರಿಂದ ಕರಾರು ಪತ್ರ ಮಾಡಿಕೊಂಡಿರುತ್ತಾರೆ ಹಾಗೂ ಸದರಿ ಜಮೀನು ಕರ್ನಾಟಕ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡ (ಪಿ.ಟಿ.ಸಿ.ಎಲ್) ಅಧಿನಿಯಮ 1978, ಕರ್ನಾಟಕ ಭೂ ಮಂಜೂರಾತಿ ನಿಯಮಾವಳಿಗಳು ಹಾಗೂ ಇನ್ನಿತರ ಪರಭಾರೆ ನಿಷೇಧ ಕಾಯ್ದೆಗಳ ವ್ಯಾಪ್ತಿಗೆ ಒಳಪಡುವುದಿಲ್ಲ.

ರಾಜ್ಯ ಸರ್ಕಾರವು ಸಾರ್ವಜನಿಕ ಹಿತಾಸಕ್ತಿಯ ಮೇಲೆ ಕಾರಣಗಳನ್ನು ದಾಖಲಿಸಿ ನಿರ್ದಿಷ್ಟ ಉದ್ದೇಶಕ್ಕಾಗಿ ಎಷ್ಟೇ ವಿಸ್ತೀರ್ಣದ ಭೂಮಿಯನ್ನು ಷರತ್ತು ಮತ್ತು ನಿರ್ಬಂಧನೆಗಳನ್ನು ವಿಧಿಸಿ ಕರ್ನಾಟಕ ಭೂ ಸುಧಾರಣಾ ಅಧಿನಿಯಮ 1961ರ ಕಲಂ 63, 79ಎ, 79ಬಿ ಅಥವಾ 80ರ ಅವಕಾಶಗಳಿಂದ ವಿನಾಯಿತಿ ನೀಡಲು ಸದರಿ ಅಧಿನಿಯಮದ ಕಲಂ 109(1ಎ) ರಡಿ ಅವಕಾಶ ಕಲ್ಪಿಸಿದೆ.

ಈ ಪ್ರಸ್ತಾವನೆ ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ಅಧಿನಿಯಮ 1995ರ ಕಲಂ 109(1ಎ) ಮತ್ತು ಕರ್ನಾಟಕ ಭೂ ಸುಧಾರಣೆ (ತಿದ್ದುಪಡಿ) ನಿಯಮಗಳು, 1996ರ ನಿಯಮ 38–ಬಿ ಮತ್ತು 38–ಸಿ ರಲ್ಲಿನ ಷರತ್ತುಗಳನ್ನು ಪೂರೈಸಿದ್ದು ಕರ್ನಾಟಕ ಭೂ ಸುಧಾರಣೆ ಅಧಿನಿಯಮ 1961ರ ಕಲಂ 63, 79ಎ, 79ಬಿ, ಅಥವಾ 80ಕ್ಕೆ ವಿನಾಯಿತಿ ನೀಡಿ ಕಾಂಗ್ರಿಗೇಷನ್ ಆಫ್ ದಿ ಸಿಸ್ಟರ್ಸ್ ಆಫ್ ಸೆಂಟ್ ಜೋಸೆಫ್ ಆಫ್ ಕ್ಲಾನಿ ಬೆಂಗಳೂರು. ಇವರು ಮೈಸೂರು ಜಿಲ್ಲೆ, ಹೆಚ್.ಡಿ.ಕೋಟೆ ತಾಲ್ಲೂಕು, ಹೆಚ್.ಡಿ.ಕೋಟೆ ಗ್ರಾಮದ ಸ.ನಂ.165/1ಪಿ2, 351, 359 ರಲ್ಲಿ 8 ಎಕರೆ 20 ಗುಂಟೆ ಜಮೀನನ್ನು **ವೃದ್ಧಾಶ್ರಮ ಹಾಗೂ ಕನ್ಯಾಸ್ತ್ರೀಯರ ಆಶ್ರಮ ಸ್ಥಾಪಿಸುವ** ಉದ್ದೇಶಕ್ಕಾಗಿ ಖರೀದಿಸಲು ಕರ್ನಾಟಕ ಭೂ ಸುಧಾರಣೆ ಕಾಯ್ದೆ 1961ರ ಕಲಂ 109ರಡಿ ಈ ಕೆಳಕಂಡ ಷರತ್ತುಗಳಿಗೆ ಒಳಪಟ್ಟಂತೆ ಸರ್ಕಾರದ ಅನುಮತಿ ನೀಡಲಾಗಿದೆ:–

1 ಯಾವ ಉದ್ದೇಶಕ್ಕಾಗಿ ಜಮೀನನ್ನು ಖರೀದಿಸಲು ಅನುಮತಿ ನೀಡಲಾಗಿದೆಯೋ ಅದೇ ಉದ್ದೇಶಕ್ಕಾಗಿ ಸದರಿ ಜಮೀನನ್ನು ಎರಡು ವರ್ಷಗಳೊಳಗಾಗಿ ಉಪಯೋಗಿಸತಕ್ಕದ್ದು ಮತ್ತು ಆ ಬಗ್ಗೆ ಜಿಲ್ಲಾಧಿಕಾರಿಗಳ ಮುಖಾಂತರ ಸರ್ಕಾರಕ್ಕೆ ಲಿಖಿತವಾಗಿ ಮಾಹಿತಿ ನೀಡತಕ್ಕದ್ದು.

2 ವಿನಾಯಿತಿ ಪಡೆದವರು ಸರ್ಕಾರ ಅಥವಾ ಯಾವುದೇ ಷೆಡ್ಯೂಲ್ ಬ್ಯಾಂಕ್ ಅಥವಾ ಸಹಕಾರಿ, ಕೃಷಿ ಮತ್ತು ಗ್ರಾಮೀಣಾಭಿವೃದ್ಧಿ ಬ್ಯಾಂಕ್ ಒಂದಕ್ಕೆ ಅಥವಾ ಕಂಪನಿ ಕಾಯ್ದೆ, 1956ರ ಕಲಂ 3 ರಲ್ಲಿ ಹೇಳಿರುವಂತೆ ಶೇಕಡ 51 ಪೇಯ್ಡ್ ಅಪ್ ಷೇರು ಬಂಡವಾಳ ಹೊಂದಿದ ರಾಜ್ಯ ಸರ್ಕಾರ ಅಥವಾ ಕೇಂದ್ರ ಸರ್ಕಾರ ಅಥವಾ ರಾಜ್ಯ ಸರ್ಕಾರದ ನಿಯಂತ್ರಿತ ಅಥವಾ ಎರಡರ ಹಿಡಿತ ಹೊಂದಿರುವ ಸರ್ಕಾರದ ಸಂಘ/ಸಂಸ್ಥೆ ಒಂದಕ್ಕೆ ಖಾತರಿ ನೀಡಿ ಅಡಮಾನ ಹಾಗೂ ಇತರೆ ಹೊಣೆ ಮಾಡಿ ಸಾಲ ಪಡೆಯುವುದನ್ನು ಹೊರತುಪಡಿಸಿ ಸದರಿ ಜಮೀನನ್ನು ನಿಗದಿತ ಉದ್ದೇಶಕ್ಕಲ್ಲದೆ ಬೇರೆ ಉದ್ದೇಶಕ್ಕೆ ಬಳಸತಕ್ಕದ್ದಲ್ಲ.

3 ಜಮೀನು ನಗರಾಭಿವೃದ್ಧಿ ಪ್ರಾಧಿಕಾರದ ಸಿ.ಡಿ.ಪಿ/ಒ.ಡಿ.ಪಿ. ವ್ಯಾಪ್ತಿಯೊಳಗೆ ಬಂದರೆ, ಅದರಂತೆ ಅನುಮತಿ ಪಡೆದು ಉಪಯೋಗಿಸತಕ್ಕದ್ದು.

4 ಈ ಅನುಮತಿಯು ಕರ್ನಾಟಕ ಭೂಸುಧಾರಣೆ ಅಧಿನಿಯಮ, 1961ರ ಕಲಂ 109 ರನ್ವಯ ವಿನಾಯಿತಿ ಮಾತ್ರವಾಗಿರುತ್ತದೆ. ಬೇರೆ ಕಾನೂನುಗಳ ಉಲ್ಲಂಘನೆಯಾದಲ್ಲಿ ಸಂಬಂಧಿಸಿದ ಕಾಯ್ದೆಯಡಿ ಅಗತ್ಯ ಕ್ರಮ ಜರುಗಿಸಲು ಅವಕಾಶವಿರುತ್ತದೆ.

5 ಈ ಜಮೀನನ್ನು ವ್ಯವಸಾಯದಿಂದ ವ್ಯವಸಾಯೇತರ ಉದ್ದೇಶಕ್ಕಾಗಿ ಪರಿವರ್ತಿಸಿಕೊಳ್ಳಲು ಕರ್ನಾಟಕ ಭೂ ಕಂದಾಯ ಅಧಿನಿಯಮ, 1964ರ ಕಲಂ 95 ರಂತೆ ಜಿಲ್ಲಾಧಿಕಾರಿಗಳಿಂದ ಅನುಮತಿ ಪಡೆಯತಕ್ಕದ್ದು.

6 ಸಂಸ್ಥೆ ನಡೆಸುವ ಚಟುವಟಿಕೆಗಳು ಸ್ಥಳೀಯ ಕಾನೂನು, ಕರ್ನಾಟಕ ಮತ್ತು ಭಾರತದ ಕಾನೂನುಗಳನ್ನು ಪಾಲಿಸತಕ್ಕದ್ದು.

7 ಪ್ರಸ್ತಾಪಿತ ಜಮೀನುಗಳಲ್ಲಿ ಯಾವುದೇ ಅಭಿವೃದ್ಧಿ ಕಾರ್ಯ ಕೈಗೊಳ್ಳುವ ಮೊದಲು ಜಮೀನಿನ ವಿನ್ಯಾಸಕ್ಕೆ ನಗರ ಯೋಜನಾ ಇಲಾಖೆ/ಅಭಿವೃದ್ಧಿ ಪ್ರಾಧಿಕಾರ/ಸ್ಥಳೀಯ ಪ್ರಾಧಿಕಾರಗಳಿಂದ ಅನುಮೋದನೆ ಪಡೆಯತಕ್ಕದ್ದು.

8 ಮೇಲಿನ ಷರತ್ತುಗಳು ಉಲ್ಲಂಘನೆಯಾದಲ್ಲಿ ಈಗ ನೀಡಲಾಗಿರುವ ಅನುಮತಿಯನ್ನು ಕಾನೂನು ರೀತ್ಯ ರದ್ದುಪಡಿಸಲಾಗುವುದು ಮತ್ತು ಪ್ರಸ್ತಾಪಿತ ಭೂಮಿಯನ್ನು ಋಣಮುಕ್ತವಾಗಿ ಸರ್ಕಾರದಲ್ಲಿ ನಿಹಿತ ಮಾಡಿಕೊಳ್ಳಲಾಗುವುದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

ಪಿ.ಆರ್. 177

**ಟಿ.ಎನ್. ನಾರಾಯಣ ಗೌಡ**

ಸರ್ಕಾರದ ಅಧೀನ ಕಾರ್ಯದರ್ಶಿ

ಕಂದಾಯ ಇಲಾಖೆ (ಭೂ ಸುಧಾರಣೆ)

**ಸಹಕಾರ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಸಇ 38 ರರವಿ 2009, ಬೆಂಗಳೂರು, ದಿನಾಂಕ:02ನೇ ಮೇ, 2009**

ಕರ್ನಾಟಕ ಸರ್ಕಾರದ ಸಚಿವಾಲಯದ ಸಹಕಾರ ಇಲಾಖೆಯು ಡಾ: ಅಂಬೇಡ್ಕರ್ ವೀಧಿಯ ಬಹುಮಹಡಿ ಕಟ್ಟಡದ 2ನೇ ಹಂತ, 2ನೇ ಗೇಟ್, ಬೆಂಗಳೂರು–560001 ಇಲ್ಲಿ ನೆಲೆಗೊಂಡಿದೆ. ಭಾರತ ಸರ್ಕಾರದ ಮಾಹಿತಿ ಹಕ್ಕು ಕಾಯಿದೆ 2005 ರ ಕಲಂ 4(1)ಬಿ ಅನುಸಾರ ಸಹಕಾರ ಇಲಾಖೆಗೆ ಸಂಬಂಧಿಸಿದಂತೆ ಈ ಕೆಳಕಂಡ ಮಾಹಿತಿಗಳನ್ನು ಪ್ರಕಟಿಸಲಾಗಿದೆ.

ಕರ್ನಾಟಕ ಸರ್ಕಾರದಲ್ಲಿ ಸಹಕಾರ ಇಲಾಖೆಯು ಪ್ರಮುಖ ಇಲಾಖೆಗಳಲ್ಲಿ ಒಂದಾಗಿದೆ. ಈ ಇಲಾಖೆಯು ಸಾಮಾಜಿಕ ಮತ್ತು ಆರ್ಥಿಕ ಯೋಜನೆಗಳನ್ನು ಜಾರಿಗೊಳಿಸುತ್ತಿರುವ ವಿವಿಧ ಇತರೆ ಇಲಾಖೆಗಳ ಸಂಪೂರ್ಣ ಸಹಕಾರ ಹಾಗೂ ಸಹಯೋಗದೊಂದಿಗೆ ಕಾರ್ಯನಿರ್ವಹಿಸುತ್ತಿದೆ.

ಸಹಕಾರ ಇಲಾಖೆಯ ಪ್ರಮುಖ ಉದ್ದೇಶವೆಂದರೆ, ಕರ್ನಾಟಕದಲ್ಲಿ ಸಮರ್ಥ ಮತ್ತು ಪರಿಣಾಮಕಾರಿ ಸಹಕಾರಿ ವಲಯವನ್ನು ಸೃಷ್ಟಿಸುವುದಾಗಿದೆ. ಕರ್ನಾಟಕ ಸರ್ಕಾರದ ಸಚಿವಾಲಯದ ವ್ಯಾಪ್ತಿಯಲ್ಲಿ ಸಹಕಾರ ಇಲಾಖೆಯ ಸಂಘಟನಾ ರಚನೆಯು ಈ ಕೆಳಕಂಡಂತೆ ಇದೆ

**<u>ಸೆಕ್ಷನ್ 4 ಬಿ(1) ಸಂಘಟನಾ ತ:ಖ್ತೆ:</u>**

**ಸಹಕಾರ ಇಲಾಖೆಯ ಸಂಘಟನೆಯ ನಕ್ಷೆ**



ಈ ಇಲಾಖೆಯ ವಿವಿಧ ಶಾಖೆಗಳಲ್ಲಿ ಈ ಕೆಳಕಂಡ ಕೆಲಸ ಕಾರ್ಯಗಳನ್ನು ನಿರ್ವಹಿಸಬೇಕಾಗುತ್ತದೆ.

**ಸಹಕಾರ–ಎ ಶಾಖೆ:–**

1. ಸಹಕಾರ ಸಂಘಗಳ ನಿಬಂಧಕರ ಇಲಾಖೆಗೆ ಸಂಬಂಧಪಟ್ಟ ಸಿಬ್ಬಂದಿ/ಅಧಿಕಾರಿಗಳ ಎಲ್ಲಾ ಸೇವಾ ವಿಷಯಗಳು
2. ಸಹಕಾರ ಸಂಘಗಳ ಲೆಕ್ಕಪರಿಶೋಧನಾ ಇಲಾಖೆಯ ಅಧಿಕಾರಿ / ಸಿಬ್ಬಂದಿಗಳ ಎಲ್ಲಾ ಸೇವಾ ವಿಷಯಗಳು
3. ಶಾಖೆಗೆ ಸಂಬಂಧಪಟ್ಟಂತೆ ವಿಧಾನ ಮಂಡಲದ ಪ್ರಶ್ನೆಗಳು ಹಾಗೂ ವಿಷಯಗಳ ಬಗ್ಗೆ.

**ಸಹಕಾರ–ಬಿ ಶಾಖೆ:–**

1. ಕೃಷಿ ಮಾರಾಟ ಇಲಾಖೆಯ ಎಲ್ಲಾ ಯೋಜನೆಗಳಿಗೆ ಸಂಬಂಧಿಸಿದ ವಿಷಯಗಳು.
2. ಕರ್ನಾಟಕ ರಾಜ್ಯ ಕೃಷಿ ಮಾರಾಟ ಮಂಡಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು
3. ಕರ್ನಾಟಕ ಕೃಷಿ ಉತ್ಪನ್ನ ಮಾರಾಟ (ನಿಯಂತ್ರಣ) ಕಾಯ್ದೆ, 1966 ಮತ್ತು ಕರ್ನಾಟಕ ಕೃಷಿ ಉತ್ಪನ್ನ ಮಾರಾಟ (ನಿಯಂತ್ರಣ) ನಿಯಮಾವಳಿ 1968 ಕ್ಕೆ ಸಂಬಂಧಿಸಿದ ಎಲ್ಲಾ ವಿಷಯಗಳು
4. ಕೃಷಿ ಮಾರಾಟ ಇಲಾಖೆಯ ಸಿಬ್ಬಂದಿ / ಅಧಿಕಾರಿಗಳ ಎಲ್ಲಾ ಸೇವಾ ವಿಷಯಗಳು
5. ಕೃಷಿ ಮಾರಾಟ ಇಲಾಖೆಯ / ಮಂಡಳಿಯ ಸೇವಾ ವಿಷಯಗಳು
6. ಕೃಷಿ ಮಾರಾಟ ಇಲಾಖೆಯ ಅಧಿಕಾರಿಗಳ ಆಸ್ತಿ / ಹೊಣೆಗಾರಿಕೆ ಪಟ್ಟಿ ವಿಷಯಗಳು.
7. ಕೃಷಿ ಮಾರಾಟ ಇಲಾಖೆಯ ಅಧಿಕಾರಿಗಳ ಆಸ್ತಿ / ಹೊಣೆಗಾರಿಕೆ ಪಟ್ಟಿ ವಿಷಯಗಳು.
8. ಶಾಖೆಗೆ ಸಂಬಂಧಪಟ್ಟಂತೆ ವಿಧಾನ ಮಂಡಲದ ಪ್ರಶ್ನೆಗಳು ಹಾಗೂ ವಿಷಯಗಳ ಬಗ್ಗೆ.

**ಸಹಕಾರ–ಸಿ ಶಾಖೆ:–**

1. ಸ್ವೀಕೃತಿ ಮತ್ತು ರವಾನೆಗೆ ಸಂಬಂಧಿಸಿದ ಎಲ್ಲ ವಿಷಯಗಳು
2. ಸಚಿವಾಲಯ ಕೈಪಿಡಿಯಲ್ಲಿ ನಿಗದಿಪಡಿಸಿದ ಕ್ರೋಢಿಕರಣ ವಿಷಯಗಳು
3. ಸಚಿವಾಲಯದ ಮಟ್ಟದ ಅಂತರ್ ಶಾಖೆ ಕ್ರೋಢಿಕರಣಕ್ಕೆ ಸಂಬಂಧಿಸಿದ ವಿಷಯಗಳು
4. ಸಮನ್ವಯ ವಿಷಯಗಳು
5. ಸಂಘಟನೆ ಮತ್ತು ವ್ಯವಸ್ಥಾಪನಾ (O&M) ವಿಷಯಗಳು
6. ಶಾಖೆಗೆ ಸಂಬಂಧಪಟ್ಟಂತೆ ವಿಧಾನ ಮಂಡಲದ ಪ್ರಶ್ನೆಗಳು ಹಾಗೂ ವಿಷಯಗಳ ಬಗ್ಗೆ.

**ಸಹಕಾರ–ಡಿ ಶಾಖೆ:–**

1. ಬಳಕೆದಾರರ ಸಹಕಾರ ಸಂಘಗಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು.
2. ಕರ್ನಾಟಕ ಸಹಕಾರ ಗ್ರಾಹಕರ ಮಂಡಳಕ್ಕೆ ಸಂಬಂಧಿಸಿದ ಎಲ್ಲಾ ವಿಷಯಗಳು.
3. ತಾಲ್ಲೂಕು ವ್ಯವಸಾಯೋತ್ಪನ್ನ ಮಾರಾಟ ಸಹಕಾರ ಸಂಘ (ಟಿಎಪಿಸಿಎಂಎಸ್)ಗಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು.
4. ಕರ್ನಾಟಕ ರಾಜ್ಯ ಸಹಕಾರ ಮಾರಾಟ ಮಹಾಮಂಡಳಕ್ಕೆ ಸಂಬಂಧಿಸಿದ ಎಲ್ಲಾ ವಿಷಯಗಳು.
5. ಎನ್.ಸಿ.ಡಿ.ಸಿ 3ನೇ ಯೋಜನೆಗೆ ಸಂಬಂಧಿಸಿದ ವಿಷಯಗಳು.
6. ಗ್ರಾಮೀಣ ಗೋದಾಮು, ಮಾರುಕಟ್ಟೆ ಗೋದಾಮುಗಳನ್ನು ನಿರ್ಮಿಸಲು ಸಹಕಾರ ಸಂಘಗಳಿಗೆ ಆರ್ಥಿಕ ಸಹಾಯ.
7. ಸಂಸ್ಕರಣ ಸಹಕಾರ ಸಂಘಗಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು.
4. ಗ್ರಾಮೀಣ ವಿದ್ಯುತ್ ಸಹಕಾರ ಸಂಘಗಳಿಗೆ ಸಂಬಂಧಿಸಿದ ವಿಷಯಗಳು.
9. ಕರ್ನಾಟಕ ರಾಜ್ಯ ಉಗ್ರಾಣ ನಿಗಮಕ್ಕೆ ಸಂಬಂಧಿಸಿದ ಎಲ್ಲಾ ವಿಷಯಗಳು.
10. ಮಹಿಳಾ ವಿವಿದೋದ್ದೇಶ ಸಹಕಾರ ಸಂಘಗಳಿಗೆ ಮತ್ತು ಲ್ಯಾಂಪ್ಸ್ ಸಹಕಾರ ಸಂಘಗಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು.
11. ಶಾಖೆಗೆ ಸಂಬಂಧಪಟ್ಟಂತೆ ವಿಧಾನ ಮಂಡಲದ ಪ್ರಶ್ನೆಗಳು ಹಾಗೂ ವಿಷಯಗಳ ಬಗ್ಗೆ.
12. ಕರ್ನಾಟಕ ರಾಜ್ಯ ಸಹಕಾರಿ ಮಹಾಮಂಡಳಕ್ಕೆ ಸಂಬಂಧಿಸಿದ ವಿಷಯ ಮತ್ತು ಸಹಕಾರ ತರಬೇತಿ ಕೇಂದ್ರಗಳ ವಿಷಯಗಳು, ಜಿಲ್ಲಾ ಸಹಕಾರ ಯೂನಿಯನ್ನಿಗೆ ಸಂಬಂಧಿಸಿದ ವಿಷಯಗಳು.
13. ಕರ್ನಾಟಕ ರಾಜ್ಯ ಕೈಗಾರಿಕಾ ಸಹಕಾರ ಬ್ಯಾಂಕ್‌ಗಳಿಗೆ: ಕೈಗಾರಿಕಾ ಸಹಕಾರಿ ಸಂಘಗಳು ಸಂಬಂಧಿಸಿದ ವಿಷಯಗಳು
14. ಗ್ರಾಮೀಣ ವಿದ್ಯುತ್ ಸಹಕಾರ ಸಂಘಗಳಿಗೆ ಸಂಬಂಧಿಸಿದ ವಿಷಯಗಳು

15. ಮಹಿಳಾ ಕೈಗಾರಿಕಾ ಸಹಕಾರ ಸಂಘಗಳ ವಿಷಯಗಳು

16. ಕರ್ನಾಟಕ ರಾಜ್ಯ ತೆಂಗಿನ ನಾರಿನ ಸಹಕಾರ ಮಹಾಮಂಡಳಕ್ಕೆ ಸಂಬಂಧಿಸಿದ ವಿಷಯಗಳು.

**ಸಹಕಾರ–ಎಫ್ ಶಾಖೆ:–**

1. ಕೇಂದ್ರ ಪುರಸ್ಕೃತ ಯೋಜನೆಗಳು ಕೋ–ಆಪರೇಟಿವ್ ಕ್ರೆಡಿಟ್ ಸೋಸೈಟೀಸ್ / ಬ್ಯಾಂಕ್ಸ್
2. ಕೋಆಪರೇಟಿವ್ ರೂರಲ್ ಕ್ರೆಡಿಟ್ ಸೋಸೈಟೀಸ್ / ಬ್ಯಾಂಕ್ಸ್
3. ಕಾಸ್ಕಾರ್ಡ ಬ್ಯಾಂಕ್ / ಅಪೆಕ್ಸ್ ಬ್ಯಾಂಕ್ /ಡಿ ಸಿ ಸಿ ಬ್ಯಾಂಕ್ಸ್‌ಗಳ ವಿಷಯಗಳು
4. ವ್ಯವಸಾಯ ಸೇವಾ ಸಹಕಾರ ಸಂಘಗಳು / ಕ್ರೆಡಿಟ್ ಸಹಕಾರ ಸಂಘಗಳ ವಿಷಯಗಳು / ಹಾಲು ಉತ್ಪನ್ನಗಳ ಸಹಕಾರ ಸಂಘಗಳು.
5. ಕೆಎಂಎಫ್/ ಎನ್‌ಡಿಡಿಬಿ ವಿಷಯಗಳು, ನಬಾರ್ಡ್ ವಿಷಯಗಳು
6. ಸಹಕಾರ ಇಲಾಖೆಯ ಮುಂದುವರಿದ ಯೋಜನೆಗಳ ವಿಷಯಗಳು
7. ಸರ್ಕಾರಕ್ಕೆ ಸಲ್ಲಿಸುವ ಮೇಲ್ಮನವಿ ಮತ್ತು ಪುನರ್ ಪರಿಶೀಲನಾ ಅರ್ಜಿಗಳು.
8. ಶಾಖೆಗೆ ಸಂಬಂಧಪಟ್ಟಂತೆ ವಿಧಾನ ಮಂಡಲದ ಪ್ರಶ್ನೆಗಳು ಹಾಗೂ ವಿಷಯಗಳ ಬಗ್ಗೆ.

**ಸಹಕಾರ–ಜಿ ಶಾಖೆ:–**

1. ಚಿಟ್ ಫಂಡ್ ಆಕ್ಟ್ / ಮನಿಲೆಂಡರ್ ಆಕ್ಟ್ / ಪಾನ್‌ಬ್ರೋಕರ್ ಆಕ್ಟ್ / ರೂಲ್ಸ್
2. ಸಹಕಾರ ಸಂಘಗಳಿಗೆ ಸಂಬಂಧಪಟ್ಟ ವಿಷಯಗಳು
3. ಕರ್ನಾಟಕ ಸಹಕಾರ ಸಂಘಗಳ ಕಾಯಿದೆ / ನಿಯಮಗಳು/ ತಿದ್ದುಪಡಿ ವಿಷಯಗಳು
4. ಸಹಕಾರ ಸಂಘಗಳ ನಾಮ ನಿರ್ದೇಶನಗಳು
5. ಗೃಹ ನಿರ್ಮಾಣ ಸಹಕಾರ ಸಂಘಗಳಿಗೆ ಸಂಬಂಧಪಟ್ಟ ವಿಷಯಗಳು
6. ಪಟ್ಟಣ ಬ್ಯಾಂಕ್‌ಗಳ ಮಹಾ ಮಂಡಳ / ಪಟ್ಟಣ ಬ್ಯಾಂಕುಗಳ ವಿಷಯಗಳು
7. ರಾಜ್ಯ ಸೌಹಾರ್ದ ಸಂಯುಕ್ತ ಸಹಕಾರ ನಿಯಮಿತ ವಿಷಯಗಳು
8. ವಸತಿ ಮಹಾ ಮಂಡಳ
9. ಸಹಕಾರ ಕುರಿ ಉತ್ಪಾದನೆ ಮಂಡಳಿ
10. ಮೇಲಿನ ವಿಷಯಗಳಿಗೆ ಸಂಬಂಧಿಸಿದಂತೆ ಸರ್ಕಾರಕ್ಕೆ ಸಲ್ಲಿಸುವ ಮೇಲ್ಮನವಿಗಳು ಮತ್ತು ಪುನರ್ ಪರಿಶೀಲನಾ ಅರ್ಜಿಗಳು
11. ಪಾನ್‌ಬ್ರೋಕರ್ ಆಕ್ಟ್ / ರೂಲ್ಸ್, ಸಹಕಾರ ಸಂಘಗಳಿಗೆ ಸಂಬಂಧಪಟ್ಟ ವಿಷಯಗಳು.
12. ಶಾಖೆಗೆ ಸಂಬಂಧಪಟ್ಟಂತೆ ವಿಧಾನ ಮಂಡಲದ ಪ್ರಶ್ನೆಗಳು ಹಾಗೂ ವಿಷಯಗಳ ಬಗ್ಗೆ.

**ಕಲಂ 4ಬಿ(ii):–**

**ಸರ್ಕಾರದ ಕಾರ್ಯದರ್ಶಿಗಳು ಸಹಕಾರ ಇಲಾಖೆ:–**

ಇವರು ಇಲಾಖೆಯ ಅಧಿಕೃತ ಮುಖ್ಯಸ್ಥರು, ವಿವಿಧ ಸಹಕಾರ ಸಂಘಗಳು, ರಾಜ್ಯ ಮಟ್ಟದ ಸಹಕಾರಿ ಫೆಡರೇಷನ್ ಸಂಸ್ಥೆಗಳು, ಸಹಕಾರಿ ಬ್ಯಾಂಕುಗಳು, ಕ್ರೆಡಿಟ್ ಸಹಕಾರ ಸಂಘಗಳು, ಕಾಸ್ಕಾರ್ಡ್ ಬ್ಯಾಂಕ್, ಡಿ ಸಿ ಸಿ ಬ್ಯಾಂಕ್, ಅಪೆಕ್ಸ್ ಬ್ಯಾಂಕ್ ವಿಷಯಗಳು.

ಕರ್ನಾಟಕ ಸಹಕಾರ ಸಂಘಗಳ ಕಾಯಿದೆ ನಿಯಮ ತಿದ್ದುಪಡಿ ವಿಷಯಗಳು, ಚಿಟ್ ಫಂಡ್ ಕಾಯಿದೆ ವಿಷಯಗಳು, ಮನಿಲೆಂಡರ್ ಕಾಯಿದೆ ವಿಷಯಗಳು, ರಾಜ್ಯ ಸೌಹಾರ್ದ ಸಹಕಾರಿ ಕಾಯಿದೆ ವಿಷಯಗಳು, ಫಾನ್ ಬ್ರೋಕರ್ ಕಾಯಿದೆಗೆ ಸಂಬಂಧಪಟ್ಟ ವಿಷಯಗಳು, ಕೃಷಿ ಮಾರಾಟ ಇಲಾಖೆಯ ವಿವಿಧ ಯೋಜನೆಗಳಿಗೆ ಸಂಬಂಧಿಸಿದ ವಿಷಯಗಳು, ಕರ್ನಾಟಕ ರಾಜ್ಯ ಕೃಷಿ ಮಾರಾಟ ಮಂಡಳಿಗೆ ಸಂಬಂಧಿಸಿದ ವಿಷಯಗಳು, ಕರ್ನಾಟಕ ಕೃಷಿ ಉತ್ಪನ್ನ ಮಾರಾಟ (ನಿಯಂತ್ರಣ) ಕಾಯಿದೆ, 1966 ಮತ್ತು ನಿಯಮಾವಳಿ 1968 ಕ್ಕೆ ಸಂಬಂಧಿಸಿದ ವಿಷಯಗಳು, ಸಹಕಾರ ಸಂಘಗಳ ಲೆಕ್ಕಪರಿಶೋಧನಾ ಇಲಾಖೆ, ಕರ್ನಾಟಕ ರಾಜ್ಯ ಉಗ್ರಾಣ ನಿಗಮ, ಸಹಕಾರ ವಲಯದಲ್ಲಿರುವ ಸಕ್ಕರೆ ಕಾರ್ಖಾನೆಗಳು ಹಾಗೂ ನೂಲಿನ ಗಿರಣಿಗಳು ಮುಂತಾದ ವಿಷಯಗಳಿಗೆ ಸಂಬಂಧಿಸಿದಂತೆ ವ್ಯವಹಾರ ನಿಯಮಗಳಿಗೆ ಒಳಪಟ್ಟು ಮತ್ತು ಇಲಾಖೆಯ ಪ್ರಭಾರ ಹೊಂದಿರುವ ಮಾನ್ಯ ಸಚಿವರುಗಳ ಸಾಮಾನ್ಯ ಅಥವಾ ವಿಷಯಕ್ಕೆ ನಿರ್ದೇಶನಗಳನ್ವಯ ಎಲ್ಲಾ ವ್ಯವಹಾರದ ವಿಲೇಯ ಜವಾಬ್ದಾರಿಯನ್ನು

ನಿರ್ವಹಿಸುತ್ತಾರೆ. ಅಲ್ಲದೇ ತನ್ನ ಅಧೀನ ಸಿಬ್ಬಂದಿಯು ಅವರಿಗೆ ನಿರ್ವಹಿಸಿದ ಕೆಲಸಗಳನ್ನು ಸಮರ್ಥವಾಗಿ ಹಾಗೂ ತ್ವರಿತವಾಗಿ ನಿರ್ವಹಿಸುವಂತೆ ನೋಡಿಕೊಳ್ಳುತ್ತಾರೆ.

**ಪತ್ರಾಂಕಿತ ಆಪ್ತ ಕಾರ್ಯದರ್ಶಿಗಳು / ಆಪ್ತ ಸಹಾಯಕರು:–**

ಇವರು ಕಾರ್ಯದರ್ಶಿಯವರ ನಿರ್ದೇಶನಗಳಿಗೆ ಒಳಪಟ್ಟು ಕಾರ್ಯನಿರ್ವಹಿಸುತ್ತಾರೆ. ದೂರವಾಣಿ ಕರೆಗಳನ್ನು ಹಾಗೂ ಸಂದರ್ಶಕರನ್ನು ಜಾಣ್ಮೆಯಿಂದ ನಿರ್ವಹಿಸುವುದು. ಅಧಿಕಾರಿಯ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ಸಕಾಲದಲ್ಲಿ ನೆನಪು ಮಾಡಿಕೊಡುವುದು. ಅಧಿಕಾರಿ ನೀಡಿದ ಉಕ್ತ ಲೇಖನಗಳ ಚೊಕ್ಕ ಪ್ರತಿಗಳನ್ನು ತಯಾರಿಸುತ್ತಾರೆ.

**ಕಿರಿಯ ಸಹಾಯಕರು:–**

ನಿಗಧಿಪಡಿಸಿದ ರಿಜಿಸ್ಟರ್‌ಗಳನ್ನು ನಿರ್ವಹಿಸುವುದು. ವಿಷಯದ ಕಡತಗಳನ್ನು ದಾಖಲೆಯಿಡುವುದು ಮತ್ತು ರವಾನಿಸುತ್ತಾರೆ.

**ವಾಹನ ಚಾಲಕರು:–**

ವಾಹನವನ್ನು ಸುಸ್ಥಿತಿಯಲ್ಲಿಟ್ಟು ವಾಹನ ಚಾಲನೆಯ ಕಾರ್ಯ ನಿರ್ವಹಿಸುತ್ತಾರೆ.

**ಗ್ರೂಪ್ –ಡಿ:–**

ಶಾಖೆಯನ್ನು ಚೊಕ್ಕಟವಾಗಿಡುವುದು, ಮಾನ್ಯ ಸಚಿವರುಗಳಿಗೆ ಹಾಗೂ ಸಚಿವಾಲಯದೊಳಗಿನ ಇಲಾಖೆಗೆ/ ಶಾಖೆಗೆ ಕಡತಗಳನ್ನು / ಟಪಾಲುಗಳನ್ನು ತೆಗೆದುಕೊಂಡು ಹೋಗುತ್ತಾರೆ.

**ಸರ್ಕಾರದ ಜಂಟಿ ಕಾರ್ಯದರ್ಶಿಗಳು:–**

ಇವರು ಇಲಾಖೆಗೆ ಸಂಬಂಧಿಸಿದಂತೆ ಕೃಷಿ ಮಾರಾಟ ಇಲಾಖೆಯ ಯೋಜನೆಯ ವಿಷಯಕ್ಕೆ ಕೃಷಿ ಮಾರಾಟ ಇಲಾಖೆಯ ಸಿಬ್ಬಂದಿ ಮತ್ತು ಅಧಿಕಾರಿಗಳ ಸೇವಾ ವಿಷಯಗಳು, ಕರ್ನಾಟಕ ರಾಜ್ಯ ಕೃಷಿ ಮಾರಾಟ ಮಂಡಳಿಗೆ ಸಂಬಂಧಿಸಿದ ವಿಷಯಗಳು, ಕರ್ನಾಟಕ ಕೃಷಿ ಉತ್ಪನ್ನ ಮಾರಾಟ (ನಿಯಂತ್ರಣ) ಅಧಿನಿಯಮ, 1966 ಹಾಗೂ ನಿಯಮಾವಳಿ 1968 ಕ್ಕೆ ಸಂಬಂಧಿಸಿದ ವಿಷಯಗಳು.

**ಇಲಾಖೆಯ ಸಂಘಟನಾ ಮತ್ತು ವ್ಯವಸ್ಥಾಪನಾ ವಿಷಯಗಳು:–**

ಸಹಕಾರ ಸಂಘಗಳ ನಿಬಂಧಕರ ಇಲಾಖೆಗೆ ಸಂಬಂಧಪಟ್ಟ ಸಿಬ್ಬಂದಿ ಮತ್ತು ಅಧಿಕಾರಿಗಳ ಸೇವಾ ವಿಷಯಗಳು, ಸಹಕಾರ ಸಂಘಗಳ ಲೆಕ್ಕಪರಿಶೋಧನಾ ಇಲಾಖೆಯ ಸಿಬ್ಬಂದಿ ಮತ್ತು ಅಧಿಕಾರಿಗಳ ಸೇವಾ ವಿಷಯಗಳು. ಕರ್ನಾಟಕ ರಾಜ್ಯ ಸಹಕಾರ ಮಾರಾಟ ಮಂಡಳಕ್ಕೆ ಸಂಬಂಧಿಸಿದ ವಿಷಯಗಳು. ಕರ್ನಾಟಕ ರಾಜ್ಯ ಉಗ್ರಾಣ ನಿಗಮಕ್ಕೆ ಸಂಬಂಧಿಸಿದ ವಿಷಯಗಳು. ಮಹಿಳಾ ವಿವಿದ್ದೋದ್ದೇಶ ಸಹಕಾರ ಸಂಘಗಳಿಗೆ ಮತ್ತು ಲ್ಯಾಂಪ್ಸ್ ಸಹಕಾರ ಸಂಘಗಳಿಗೆ ಸಂಬಂಧಿಸಿದ ವಿಷಯಗಳು. ಕರ್ನಾಟಕ ಸಹಕಾರಿ ಗ್ರಾಹಕರ ಮಹಾ ಮಂಡಳಕ್ಕೆ ಸಂಬಂಧಿಸಿದ ವಿಷಯಗಳು. ರಾಜ್ಯಮಟ್ಟದ ಸಹಕಾರ ಮಹಾ ಮಂಡಳಗಳಿಗೆ ಸಂಬಂಧಪಟ್ಟ ವಿಷಯಗಳು. ಸಂಬಂಧಪಟ್ಟ ವಿಷಯಗಳಿಗೆ ಸಂಬಂಧಿಸಿದಂತೆ ಎಲ್ಲಾ ಪ್ರಕರಣಗಳ ವಿಲೇವಾರಿಗಳಿಗೆ ಕ್ರಮ ಜರುಗಿಸುವುದು ಹಾಗೂ ಪ್ರಮುಖ ವಿಷಯಗಳ ಮೇಲಿನ ಕ್ರಮದ ಬಗ್ಗೆ ಕಾರ್ಯದರ್ಶಿಗಳಿಗೆ ಪ್ರಸ್ತಾವನೆಯನ್ನು ಮಂಡಿಸುವುದು. ಹಾಗೂ ಇಲಾಖೆಯಲ್ಲಿ ಸಂಘಟನೆ ಮತ್ತು ವಿಧಾನಗಳ ಅಧಿಕಾರಿಯಾಗಿ ಕಾರ್ಯನಿರ್ವಹಿಸುತ್ತಾರೆ.

**ಜಂಟಿ ಕಾರ್ಯದರ್ಶಿಯವರ ಆಪ್ತ ಸಹಾಯಕರು:–**

ಇವರು ಜಂಟಿ ಕಾರ್ಯದರ್ಶಿಯವರ ನಿರ್ದೇಶನಗಳಿಗೆ ಒಳಪಟ್ಟು ಕಾರ್ಯನಿರ್ವಹಿಸುತ್ತಾರೆ. ದೂರವಾಣಿ ಕರೆಗಳನ್ನು ಹಾಗೂ ಸಂದರ್ಶಕರನ್ನು ಜಾಣ್ಮೆಯಿಂದ ನಿರ್ವಹಿಸುವುದು. ಅಧಿಕಾರಿಯ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ಅಧಿಕಾರಿಗೆ ಸಕಾಲದಲ್ಲಿ ನೆನಪು ಮಾಡಿಕೊಡುವುದು. ಅಧಿಕಾರಿ ನೀಡಿದ ಉಕ್ತ ಲೇಖನಗಳ ಚೊಕ್ಕ ಪ್ರತಿಗಳನ್ನು ತಯಾರಿಸುತ್ತಾರೆ.

**ಕಿರಿಯ ಸಹಾಯಕರು:–**

ನಿಗಧಿಪಡಿಸಿದ ರಿಜಿಸ್ಟರ್‌ಗಳನ್ನು ನಿರ್ವಹಿಸುವುದು. ವಿಷಯದ ಕಡತಗಳನ್ನು ದಾಖಲೆಯಿಡುವುದು ಮತ್ತು ರವಾನಿಸುತ್ತಾರೆ.

**ಗ್ರೂಪ್ –ಡಿ:–**

ಶಾಖೆಯನ್ನು ಚೊಕ್ಕಟವಾಗಿಡುವುದು, ಮಾನ್ಯ ಸಚಿವರುಗಳಿಗೆ ಹಾಗು ಸಚಿವಾಲಯದೊಳಗಿನ ಇಲಾಖೆಗೆ / ಶಾಖೆಗೆ ಕಡತಗಳನ್ನು / ಟಪಾಲುಗಳನ್ನು ತೆಗೆದುಕೊಂಡು ಹೋಗುತ್ತಾರೆ.

**ಆಂತರಿಕ ಆರ್ಥಿಕ ಸಲಹೆಗಾರರು:–**

ಇವರು ಈ ಇಲಾಖೆಯ ವ್ಯಾಪ್ತಿಯಲ್ಲಿ ಬರುವ ಇಲಾಖೆಗಳಿಗೆ ಹಾಗೂ ಕಂದಾಯ ಇಲಾಖೆಗೆ ಸಂಬಂಧಿಸಿದ ಆಯವ್ಯಯ ವಿಷಯಗಳು, ಅಭಿಪ್ರಾಯಕ್ಕೆ ಸಂಬಂಧಿಸಿದ ವಿಷಯಗಳು, ಆಡಿಟ್ ವರದಿಗಳಿಗೆ ಸಂಬಂಧಿಸಿದ ವಿಷಯಗಳನ್ನು ನಿರ್ವಹಿಸಿರುತ್ತಾರೆ.

**ಶೀಘ್ರಲಿಪಿಗಾರರು:–**

ಇವರು ಆಂತರಿಕ ಆರ್ಥಿಕ ಸಲಹೆಗಾರರು ನೀಡುವ ಉಕ್ತಲೇಖನ ಹಾಗೂ ಅದರ ಬೆರಳಚ್ಚು, ಅಧಿಕಾರಿಗೆ ಬರುವ ದೂರವಾಣಿ ಕರೆಗಳನ್ನು ಸ್ವೀಕರಿಸುವುದು ಮತ್ತು ಅಧಿಕಾರಿಗಳು ಆದೇಶಿಸುವ ಇತರ ಕೆಲಸಗಳನ್ನು ನಿರ್ವಹಿಸುತ್ತಾರೆ.

**ಕಿರಿಯ ಸಹಾಯಕರು:–**

ನಿಗಧಿಪಡಿಸಿದ ರಿಜಿಸ್ಟರ್‌ಗಳನ್ನು ನಿರ್ವಹಿಸುವುದು. ವಿಷಯದ ಕಡತಗಳನ್ನು ದಾಖಲೆಯಿಡುವುದು ಮತ್ತು ರವಾನಿಸುತ್ತಾರೆ.

**ಗ್ರೂಪ್ –ಡಿ:–**

ಶಾಖೆಯನ್ನು ಚೊಕ್ಕಟವಾಗಿಡುವುದು, ಮಾನ್ಯ ಸಚಿವರುಗಳಿಗೆ ಹಾಗೂ ಸಚಿವಾಲಯದೊಳಗಿನ ಇಲಾಖೆಗೆ/ ಶಾಖೆಗೆ ಕಡತಗಳನ್ನು/ಟಪಾಲುಗಳನ್ನು ತೆಗೆದುಕೊಂಡು ಹೋಗುತ್ತಾರೆ.

**ವಿಶೇಷ ಕರ್ತವ್ಯಾಧಿಕಾರಿ ಹಾಗೂ ಪದನಿಮಿತ್ತ ಜಂಟಿ ಕಾರ್ಯದರ್ಶಿ:–**

ಇವರು ಸಹಕಾರ ಇಲಾಖೆಯ ವ್ಯಾಪ್ತಿಯಲ್ಲಿ ಬರುವ–

1. ಕೇಂದ್ರ ಪುರಸ್ಕೃತ ಯೋಜನೆಗಳು ಕೋ–ಆಪರೇಟಿವ್ ಕ್ರೆಡಿಟ್ ಸೋಸೈಟೀಸ್/ಬ್ಯಾಂಕ್ಸ್
2. ಕೋ ಆಪರೇಟಿವ್ ರೂರಲ್ ಕ್ರೆಡಿಟ್ ಸೊಸೈಟೀಸ್/ಬ್ಯಾಂಕ್ಸ್
3. ಕಾಸ್ಕಾರ್ಡ್ ಬ್ಯಾಂಕ್/ ಅಪೆಕ್ಸ್ ಬ್ಯಾಂಕ್/ ಡಿ ಸಿ ಸಿ ಬ್ಯಾಂಕ್ಸ್‌ಗಳ ವಿಷಯಗಳು
4. ವ್ಯವಸಾಯ ಸೇವಾ ಸಹಕಾರ ಸಂಘಗಳು/ಕ್ರೆಡಿಟ್ ಸಹಕಾರ ಸಂಘಗಳ ವಿಷಯಗಳು/ಹಾಲು ಉತ್ಪನ್ನಗಳ ಸಹಕಾರ ಸಂಘಗಳು.
5. ಕೆಎಮ್‌ಎಫ್/ ಎನ್‌ಡಿಡಿಬಿ ವಿಷಯಗಳು, ನಬಾರ್ಡ್ ವಿಷಯಗಳು.
6. ಸಹಕಾರ ಇಲಾಖೆಯ ಮುಂದುವರಿದ ಯೋಜನೆಗಳ ವಿಷಯಗಳು
7. ಸರ್ಕಾರಕ್ಕೆ ಸಲ್ಲಿಸುವ ಮೇಲ್ಮನವಿ ಮತ್ತು ಪುನರ್ ಪರಿಶೀಲನಾ ಅರ್ಜಿಗಳು
8. ಚಿಟ್ ಫಂಡ್ ಆಕ್ಟ್/ಮನಿಲೆಂಡರ್ ಆಕ್ಟ್/ಪಾನ್‌ಬ್ರೋಕರ್ ಆಕ್ಟ್/ರೂಲ್ಸ್
9. ಸಹಕಾರ ಸಂಘಗಳಿಗೆ ಸಂಬಂಧಪಟ್ಟ ವಿಷಯಗಳು
10. ಕರ್ನಾಟಕ ಸಹಕಾರ ಸಂಘಗಳ ಕಾಯಿದೆ/ನಿಯಮಗಳು/ತಿದ್ದುಪಡಿ ವಿಷಯಗಳು
11. ಸಹಕಾರ ಸಂಘಗಳ ನಾಮ ನಿರ್ದೇಶನಗಳು
12. ಗೃಹನಿರ್ಮಾಣ ಸಹಕಾರ ಸಂಘಗಳಿಗೆ ಸಂಬಂಧಪಟ್ಟ ವಿಷಯಗಳು
13. ಪಟ್ಟಣ ಬ್ಯಾಂಕ್‌ಗಳ ಮಹಾ ಮಂಡಳ / ಪಟ್ಟಣ ಬ್ಯಾಂಕುಗಳ ವಿಷಯಗಳು
14. ರಾಜ್ಯ ಸೌಹಾರ್ದ ಸಂಯುಕ್ತ ಸಹಕಾರ ನಿಯಮಿತ ವಿಷಯಗಳು
15. ವಸತಿ ಮಹಾ ಮಂಡಳ
16. ಸಹಕಾರ ಕುರಿ ಉತ್ಪಾದನೆ ಮಂಡಳಿ
17. ಮೇಲಿನ ವಿಷಯಗಳಿಗೆ ಸಂಬಂಧಿಸಿದಂತೆ ಸರ್ಕಾರಕ್ಕೆ ಸಲ್ಲಿಸುವ ಮೇಲ್ಮನವಿಗಳು ಮತ್ತು ಪುನರ್ ಪರಿಶೀಲನಾ ಅರ್ಜಿಗಳು
18. ಪಾನ್‌ಬ್ರೋಕರ್ ಆಕ್ಟ್/ರೂಲ್ಸ್ ಸಹಕಾರ ಸಂಘಗಳಿಗೆ ಸಂಬಂಧಪಟ್ಟ ವಿಷಯಗಳಿಗೆ ಸಂಬಂಧಪಟ್ಟಂತೆ ಹಾಗೂ ಪ್ರಮುಖ ವಿಷಯಗಳ ಮೇಲಿನ ಕ್ರಮದ ಬಗ್ಗೆ ಪ್ರಧಾನ ಕಾರ್ಯದರ್ಶಿಗಳ ಪ್ರಸ್ತಾವನೆಯನ್ನು ಮಂಡಿಸುವುದು ಮತ್ತು ತಮ್ಮ ಅಧೀನ ಸಿಬ್ಬಂದಿಯು ಅವರಿಗೆ ವಹಿಸಿದ ಕೆಲಸವನ್ನು ಸಮರ್ಥವಾಗಿ ಹಾಗೂ ತ್ವರಿತವಾಗಿ ನಿರ್ವಹಿಸುವಂತೆ ನೋಡಿಕೊಳ್ಳುತ್ತಾರೆ.

**ವಿಶೇಷ ಕರ್ತವ್ಯಾಧಿಕಾರಿ ಹಾಗೂ ಪದನಿಮಿತ್ತ ಜಂಟಿ ಕಾರ್ಯದರ್ಶಿ ಇವರ ಆಪ್ತ ಸಹಾಯಕರು:–**

ಇವರು ವಿಶೇಷ ಕರ್ತವ್ಯಾಧಿಕಾರಿ ಹಾಗೂ ಪದನಿಮಿತ್ತ ಜಂಟಿ ಕಾರ್ಯದರ್ಶಿಯವರ ನಿರ್ದೇಶನಗಳಿಗೆ ಒಳಪಟ್ಟು ಕಾರ್ಯನಿರ್ವಹಿಸುತ್ತಾರೆ. ದೂರವಾಣಿ ಕರೆಗಳನ್ನು ಹಾಗೂ ಸಂದರ್ಶಕರನ್ನು ಜಾಣ್ಮೆಯಿಂದ ನಿರ್ವಹಿಸುವುದು. ಅಧಿಕಾರಿಯ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ಅಧಿಕಾರಿಗೆ ಸಕಾಲದಲ್ಲಿ ನೆನಪು ಮಾಡಿಕೊಡುವುದು. ಅಧಿಕಾರಿ ನೀಡಿದ ಉಕ್ತ ಲೇಖನಗಳ ಚೊಕ್ಕ ಪ್ರತಿಗಳನ್ನು ತಯಾರಿಸುತ್ತಾರೆ.

**ಕಿರಿಯ ಸಹಾಯಕರು:–**

ನಿಗಧಿಪಡಿಸಿದ ರಿಜಿಸ್ಟರ್‌ಗಳನ್ನು ನಿರ್ವಹಿಸುವುದು. ವಿಷಯದ ಕಡತಗಳನ್ನು ದಾಖಲೆಯಿಡುವುದು ಮತ್ತು ರವಾನಿಸುತ್ತಾರೆ.

**ಗ್ರೂಪ್ –ಡಿ: –**

ಶಾಖೆಯನ್ನು ಚೊಕ್ಕಟವಾಗಿಡುವುದು, ಮಾನ್ಯ ಸಚಿವರುಗಳಿಗೆ ಹಾಗೂ ಸಚಿವಾಲಯದೊಳಗಿನ ಇಲಾಖೆಗೆ/ಶಾಖೆಗೆ ಕಡತಗಳನ್ನು/ಟಪಾಲುಗಳನ್ನು ತೆಗೆದುಕೊಂಡು ಹೋಗುತ್ತಾರೆ.

**ಅಧೀನ ಕಾರ್ಯದರ್ಶಿ–1 :–**

ಇವರು ಈ ಕೆಳಕಂಡ ವಿಷಯಗಳ ಬಗ್ಗೆ ಸ್ವೀಕರಿಸಿದ ಪ್ರಸ್ತಾವನೆಗಳನ್ನು ಸಹಕಾರಿ ಶಾಖೆ–ಬಿ ಮತ್ತು ಸಹಕಾರ ಶಾಖೆ–ಸಿ ಗಳ ಶಾಖಾಧಿಕಾರಿಗಳಿಂದ ಸ್ವೀಕರಿಸಿದ ಪ್ರಸ್ತಾವನೆಗಳ ಬಗ್ಗೆ ಮಂಡಿಸಿದ ಪ್ರಸ್ತಾವನೆಗಳ ಕಡತಗಳನ್ನು ಪರಿಶೀಲಿಸಿ, ಜಂಟಿ ಕಾರ್ಯದರ್ಶಿಯವರು ಮಂಡಿಸುತ್ತಾರೆ.

1. ಕೃಷಿ ಮಾರಾಟ ಇಲಾಖೆಯ ಎಲ್ಲಾ ಯೋಜನೆಗಳಿಗೆ ಸಂಬಂಧಿಸಿದ ವಿಷಯಗಳು
2. ಕರ್ನಾಟಕ ರಾಜ್ಯ ಕೃಷಿ ಮಾರಾಟ ಮಂಡಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು
3. ಕರ್ನಾಟಕ ಕೃಷಿ ಉತ್ಪನ್ನ ಮಾರಾಟ (ನಿಯಂತ್ರಣ) ಕಾಯ್ದೆ, 1966 ಮತ್ತು ಕರ್ನಾಟಕ ಕೃಷಿ ಉತ್ಪನ್ನ ಮಾರಾಟ (ನಿಯಂತ್ರಣ) ನಿಯಮಾವಳಿ 1968 ಕ್ಕೆ ಸಂಬಂಧಿಸಿದ ಎಲ್ಲಾ ವಿಷಯಗಳು
4. ಕೃಷಿ ಮಾರಾಟ ಇಲಾಖೆಯ ಸಿಬ್ಬಂದಿ/ಅಧಿಕಾರಿಗಳ ಎಲ್ಲಾ ಸೇವಾ ವಿಷಯಗಳು
5. ಕೃಷಿ ಮಾರಾಟ ಇಲಾಖೆಯ/ಮಂಡಳಿಯ ಸೇವಾ ವಿಷಯಗಳು
6. ಕೃಷಿ ಮಾರಾಟ ಇಲಾಖೆಯ ಅಧಿಕಾರಿಗಳ ಆಸ್ತಿ/ಹೊಣೆಗಾರಿಕೆ ಪಟ್ಟಿ ವಿಷಯಗಳು.
7. ಸ್ವೀಕೃತಿ ಮತ್ತು ರವಾನೆಗೆ ಸಂಬಂಧಿಸಿದ ಎಲ್ಲ ವಿಷಯಗಳು
8. ಸಚಿವಾಲಯ ಕೈಪಿಡಿಯಲ್ಲಿ ನಿಗದಿಪಡಿಸಿದ ಕ್ರೋಢಿಕರಣ ವಿಷಯಗಳು
9. ಸಚಿವಾಲಯದ ಮಟ್ಟದ ಅಂತರ್ ಶಾಖೆ ಕ್ರೋಢಿಕರಣಕ್ಕೆ ಸಂಬಂಧಿಸಿದ ವಿಷಯಗಳು
10. ಸಮನ್ವಯ ವಿಷಯಗಳು ಸಂಘಟನೆ ಮತ್ತು ವ್ಯವಸ್ಥಾಪನಾ (O&M) ವಿಷಯಗಳು

**ಶೀಘ್ರಲಿಪಿಗಾರರು:–**

ಇವರು ಅಧೀನ ಕಾರ್ಯದರ್ಶಿ–1 ನೀಡುವ ಉಕ್ತಲೇಖನ ಹಾಗೂ ಅದರ ಬೆರಳಚ್ಚು, ಅಧಿಕಾರಿಗೆ ಬರುವ ದೂರವಾಣಿ ಕರೆಗಳನ್ನು ಸ್ವೀಕರಿಸುವುದು ಮತ್ತು ಅಧಿಕಾರಿಗಳು ಆದೇಶಿಸುವ ಇತರ ಕೆಲಸಗಳನ್ನು ನಿರ್ವಹಿಸುತ್ತಾರೆ.

**ಅಧೀನ ಕಾರ್ಯದರ್ಶಿ–2 :–**

ಇವರು ಈ ಕೆಳಕಂಡ ವಿಷಯಗಳ ಬಗ್ಗೆ ಸ್ವೀಕರಿಸಿದ ಪ್ರಸ್ತಾವನೆಗಳನ್ನು **ಸಹಕಾರಿ ಶಾಖೆ–ಎ** ಮತ್ತು **ಸಹಕಾರ ಶಾಖೆ–ಡಿ** ಗಳ ಶಾಖಾಧಿಕಾರಿಗಳಿಂದ ಸ್ವೀಕರಿಸಿದ ಪ್ರಸ್ತಾವನೆಗಳ ಬಗ್ಗೆ ಮಂಡಿಸಿದ ಪ್ರಸ್ತಾವನೆಗಳ ಕಡತಗಳನ್ನು ಪರಿಶೀಲಿಸಿ, ಜಂಟಿ ಕಾರ್ಯದರ್ಶಿಯವರು ಮಂಡಿಸುತ್ತಾರೆ.

1. ಸಹಕಾರ ಸಂಘಗಳ ನಿಬಂಧಕರ ಇಲಾಖೆಗೆ ಸಂಬಂಧಪಟ್ಟ ಸಿಬ್ಬಂದಿ / ಅಧಿಕಾರಿಗಳ ಎಲ್ಲಾ ಸೇವಾ ವಿಷಯಗಳು
2. ಸಹಕಾರ ಸಂಘಗಳ ಲೆಕ್ಕಪರಿಶೋಧನಾ ಇಲಾಖೆಯ ಅಧಿಕಾರಿ / ಸಿಬ್ಬಂದಿಗಳ ಎಲ್ಲಾ ಸೇವಾ ವಿಷಯಗಳು
3. ಬಳಕೆದಾರರ ಸಹಕಾರ ಸಂಘಗಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು
4. ಕರ್ನಾಟಕ ಸಹಕಾರಿ ಗ್ರಾಹಕರ ಮಹಾಮಂಡಳಕ್ಕೆ ಸಂಬಂಧಿಸಿದ ಎಲ್ಲಾ ವಿಷಯಗಳು
5. ತಾಲ್ಲೂಕು ವ್ಯವಸಾಯೋತ್ಪನ್ನ ಮಾರಾಟ ಸಹಕಾರ ಸಂಘ (ಟಿಎಪಿಸಿಎಂಎಸ್) ಗಳಿಗೆ ಸಂಬಂಧಿಸಿದ ಎಲ್ಲಾ ವಿಷಯಗಳು
6. ಕರ್ನಾಟಕ ರಾಜ್ಯ ಸಹಕಾರ ಮಾರಾಟ ಮಹಾಮಂಡಳಕ್ಕೆ ಸಂಬಂಧಿಸಿದ ಎಲ್ಲಾ ವಿಷಯಗಳು

